ಸದನದಲ್ಲಿ ಉತ್ತರಿಸುವ ಪ್ರಶ್ನೆ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 17ನೇ ಜುಲೈ, 2019

ಅಂಗನವಾಡಿ ಕೇಂದ್ರಗಳಿಗೆ ಪೂರೈಕೆಯಾಗುತ್ತಿರುವ ಆಹಾರದ ಕುರಿತು

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು)-

38 (384) ಮಹಿಳೆಯರ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಬೀದರ್ ಜಿಲ್ಲೆಯಲ್ಲಿ ಒಟ್ಟು ಎಷ್ಟು ಅಂಗನವಾಡಿ ಕೇಂದ್ರಗಳಿವೆ ; ಪ್ರತಿ ಅಂಗನವಾಡಿ ಕೇಂದ್ರಗಳಲ್ಲಿರುವ ಮಕ್ಕಳ ಸಂಖ್ಯೆ ಎಷ್ಟು ; (ವಿವರ ನೀಡುವುದು)

(ಆ) ಈ ಅಂಗನವಾಡಿ ಕೇಂದ್ರಗಳಲ್ಲಿ ಪೂರೈಸುತ್ತಿರುವ ಪೌಷ್ಠಿಕ ಆಹಾರ ಧಾನ್ಯಗಳು ಯಾವುವು ; ಅನೇಕ ಅಂಗನವಾಡಿ ಕೇಂದ್ರಗಳಲ್ಲಿ ಪೂರೈಸುತ್ತಿರುವ ಆಹಾರ ಕಳಪೆ ಮಟ್ಟದಾಗಿದ್ದು, ಸರ್ಕಾರದ ಗಮನಕ್ಕೆ ಬಂದಿದೆಯೇ ; (ವಿವರ ನೀಡುವುದು)

(ಇ) ಬಂದಿದ್ದಲ್ಲಿ, ಇಲ್ಲಿಯವರೆಗೆ ಎಷ್ಟು ಅಂಗನವಾಡಿ ಕೇಂದ್ರಗಳಿಗೆ ಮೇಲಾಧಿಕಾರಿಗಳು ಭೇಟಿ ನೀಡಿ ಆಹಾರ ಗುಣಮಟ್ಟದ ಬಗ್ಗೆ ಪರಿಶೀಲನೆ ಮಾಡಿರುತ್ತಾರೆ ; (ಅಂಗನವಾಡಿವಾರು ಸಂಪೂರ್ಣ ವಿವರ ನೀಡುವುದು)

(ಈ) ಬೀದರ್ ಜಿಲ್ಲೆಯಲ್ಲಿರುವ ಅಂಗನವಾಡಿ ಕೇಂದ್ರಗಳಿಗೆ ಆಹಾರ ಪೂರೈಸುತ್ತಿರುವ ಸಂಸ್ಥೆಗಳು/ಗುತ್ತಿಗೆದಾರರ ತಾಲ್ಲೂಕುವಾರು ಮಾಹಿತಿ ನೀಡುವುದು ;

(ಉ) ಅಂಗನವಾಡಿ ಕೇಂದ್ರಗಳಲ್ಲಿನ ಮಕ್ಕಳಿಗೆ ಸರಿಯಾದ ಸಮಯಕ್ಕೆ ಪೌಷ್ಠಿಕ ಆಹಾರ ಸರಬರಾಜು ಆಗದಿರುವುದರಿಂದ ಮಕ್ಕಳು ಅಪೌಷ್ಠಿಕತೆಯಿಂದ ಬಳಲುತ್ತಿದ್ದು, ಇದನ್ನು ತಡೆಗಟ್ಟಲು ಕೈಗೊಳ್ಳಲಾಗಿರುವ ಕ್ರಮಗಳೇನು ?